ಲಿಖಿತ ಮೂಲಕ ಉತ್ತರಿಸುವ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಗುರುವಾರ, ದಿನಾಂಕ : 19 ನೇ ಮಾರ್ಚ್, 2020

ಬೆಂಗಳೂರು ನಗರದಲ್ಲಿ ನಿರ್ಮಿಸಲು ಉದ್ದೇಶಿಸಿರುವ ಪೆರಿಫರಲ್ ರಿಂಗ್ ರಸ್ತೆ ಮತ್ತು ಎಲಿವೇಟೆಡ್ ಕಾರಿಡಾರ್ ಬಗ್ಗೆ

ಶ್ರೀ ಕೆ.ಎ. ತಿಪ್ಪೇಸ್ವಾಮಿ (ನಾಮನಿರ್ದೇಶನ ಹೊಂದಿದವರು) :-

1215 (1517) ಮಾನ್ಯ ಮುಖ್ಯಮಂತ್ರಿಗಳು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಬೆಂಗಳೂರು ನಗರ ವ್ಯಾಪ್ತಿಯಲ್ಲಿ ದಿನೇ ದಿನೇ ವಾಹನಗಳು ಅಧಿಕವಾಗುತ್ತಿದ್ದು ಟ್ರಾಫಿಕ್ ಜಾಮ್ ಆಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಆ) ಬಂದಿದ್ದಲ್ಲಿ, ಬೆಂಗಳೂರು ನಗರದಲ್ಲಿ ವಾಹನ ದಟ್ಟಣೆಯನ್ನು ನಿವಾರಿಸಲು ಈ ಹಿಂದಿನ ಮೈತ್ರಿ ಸರ್ಕಾರ ಬಿ.ಡಿ.ಎ ಯಿಂದ ಕೈಗೊಂಡ ಪೆರಿಫರಲ್ ರಿಂಗ್ ರಸ್ತೆ ನಿರ್ಮಾಣ ಮತ್ತು ಕೆ.ಆರ್.ಡಿ.ಸಿ.ಎಲ್ ವತಿಯಿಂದ ಕೈಗೊಂಡ ಎಲಿವೇಟೆಡ್ ಕಾರಿಡಾರ್ ಕಾಮಗಾರಿಗಳು ಯಾವ ಹಂತದಲ್ಲಿದೆ ; (ವಿವರ ನೀಡುವುದು)

(ಇ) ಎಲಿವೇಟೆಡ್ ಕಾರಿಡಾರ್ ಮತ್ತು ಪೆರಿಫರಲ್ ರಿಂಗ್ ರಸ್ತೆಯ ಈ ಯೋಜನೆಗಳ ಅಂದಾಜು ವೆಚ್ಚವೆಷ್ಟು ; ಎಷ್ಟು ಉದ್ದ ಮಾಡಲು ಉದ್ದೇಶಿಸಲಾಗಿತ್ತು ಮತ್ತು ಯೋಜನೆಗಳ ಅನುಷ್ಠಾನ ಯಾವ ಹಂತದಲ್ಲಿದೆ ? (ವಿವರ ನೀಡುವುದು)